

# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : | 456 |
| ವಿಧಾನ ಪರಿಷತ್ತಿನ ಸದಸ್ಯರ ಹೆಸರು | : | ಶ್ರೀ ಆರ್.ಬಿ ತಿಮ್ಮಾಪೂರ (ವಿಧಾನ ಸಭೆಯಿಂದ ಚುನಾಯಿತರಾದವರು) |
| ಉತ್ತರಿಸುವ ದಿನಾಂಕ | : | 18-02-2022 |
| ಉತ್ತರಿಸುವ ಸಚಿವರು | : | ಸಮಾಜ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು. |

<table>
<tr><th>ಕ್ರ. ಸಂ.</th><th>ಪ್ರಶ್ನೆ</th><th>ಉತ್ತರ</th></tr>
<tr><td>ಅ)</td><td>ರಾಜ್ಯದಲ್ಲಿ ಕಳೆದ ಮೂರು ವರ್ಷಗಳಲ್ಲಿ ಮತ್ತು ಪ್ರಸಕ್ತ ವರ್ಷದಲ್ಲಿ ಪರಿಶಿಷ್ಟ ಜಾತಿಯ ವಿದ್ಯಾರ್ಥಿಗಳಿಗೆ ಮೆಟ್ರಿಕ್ ನಂತರದ ವಿದ್ಯಾರ್ಥಿವೇತನ ಪಾವತಿಸಿರುವ ವಿವರಗಳ ಮಾಹಿತಿ ನೀಡುವುದು;</td><td>2018-19, 2019-20, 2020-21 ಮತ್ತು 2021-22ನೇ ಸಾಲಿನಲ್ಲಿ ಮೆಟ್ರಿಕ್ ನಂತರದ ಕೋರ್ಸುಗಳಲ್ಲಿ ವ್ಯಾಸಂಗ ಮಾಡುತ್ತಿರುವ ಪರಿಶಿಷ್ಟ ಜಾತಿ ವಿದ್ಯಾರ್ಥಿಗಳಿಗೆ ಈ ಕೆಳಕಂಡಂತೆ ವಿದ್ಯಾರ್ಥಿವೇತನ ಮಂಜೂರು ಮಾಡಲಾಗಿದೆ.
<table>
<tr><th>ವರ್ಷ</th><th>ಮಂಜೂರು ಮಾಡಲಾದ ವಿದ್ಯಾರ್ಥಿಗಳ ಸಂಖ್ಯೆ</th><th>ಮಂಜೂರು ಮಾಡಲಾದ ಮೊತ್ತ (ರೂ. ಕೋಟಿಗಳಲ್ಲಿ)</th><th>ಷರಾ</th></tr>
<tr><td>2018-19</td><td>3,33,759</td><td>425.10</td><td>-</td></tr>
<tr><td>2019-20</td><td>3,43,054</td><td>460.98</td><td>-</td></tr>
<tr><td>2020-21</td><td>2,96,734</td><td>382.25</td><td>2020-21ನೇ ಸಾಲಿನಲ್ಲಿ ರಾಜ್ಯ ವಿದ್ಯಾರ್ಥಿವೇತನ ತಂತ್ರಾಂಶದಲ್ಲಿ ವಿದ್ಯಾರ್ಥಿಗಳು ಅರ್ಜಿ ಸಲ್ಲಿಸಲು ದಿನಾಂಕ:16-01-2021 ರಿಂದ ಅವಕಾಶ ಕಲ್ಪಿಸಲಾಗಿದ್ದು, ಪ್ರಸ್ತುತ ಮಂಜೂರಾತಿ ಪ್ರಕ್ರಿಯೆ ಪ್ರಗತಿಯಲ್ಲಿದೆ.</td></tr>
<tr><td>2021-22</td><td>73,037</td><td>11.84</td><td>2020-21ನೇ ಸಾಲಿನಲ್ಲಿ ರಾಜ್ಯ ವಿದ್ಯಾರ್ಥಿವೇತನ ತಂತ್ರಾಂಶದಲ್ಲಿ ವಿದ್ಯಾರ್ಥಿಗಳು ಅರ್ಜಿ ಸಲ್ಲಿಸಲು ದಿನಾಂಕ:29-09-2021 ರಿಂದ ಅವಕಾಶ ಕಲ್ಪಿಸಲಾಗಿದ್ದು, ಪ್ರಸ್ತುತ ಮಂಜೂರಾತಿ ಪ್ರಕ್ರಿಯೆ ಪ್ರಗತಿಯಲ್ಲಿದೆ.</td></tr>
</table>
</td></tr>
<tr><td>ಆ)</td><td>ಈ ವಿದ್ಯಾರ್ಥಿವೇತನಕ್ಕಾಗಿ ಹೆಚ್ಚು ಹೆಚ್ಚು ಪರಿಶಿಷ್ಟ ಜಾತಿಯ ವಿದ್ಯಾರ್ಥಿಗಳು ಪ್ರಯೋಜನ ಪಡೆಯಲು ಅನುಕೂಲವಾಗುವಂತೆ ಸರ್ಕಾರವು ಮಾಡುತ್ತಿರುವ ಪ್ರಯತ್ನಗಳೇನು;</td><td>ಮೆಟ್ರಿಕ್ ನಂತರದ ಕೋರ್ಸುಗಳಲ್ಲಿ ವ್ಯಾಸಂಗ ಮಾಡುತ್ತಿರುವ ಹಾಗೂ ಕುಟುಂಬದ ವಾರ್ಷಿಕ ಆದಾಯ ರೂ.2.50 ಲಕ್ಷ ಮಿತಿಯೊಳಗಿರುವ ಎಲ್ಲಾ ಪರಿಶಿಷ್ಟ ಜಾತಿ ವಿದ್ಯಾರ್ಥಿಗಳಿಂದ ಏಕಗವಾಕ್ಷಿ ತಂತ್ರಾಂಶದ ಮೂಲಕ ಕಾಗದ ರಹಿತವಾಗಿ ಆನ್‌ಲೈನ್ ಮೂಲಕ ಅರ್ಜಿಗಳನ್ನು ಪಡೆಯಲಾಗುತ್ತಿದೆ. ಸದರಿ ಕಾರ್ಯಕ್ರಮ ಎಲ್ಲಾ ಅರ್ಹ ಪರಿಶಿಷ್ಟ ಜಾತಿ ವಿದ್ಯಾರ್ಥಿಗಳಿಗೆ ಲಭಿಸುವಂತೆ ಮಾಡುವ ನಿಟ್ಟಿನಲ್ಲಿ ಈಗಾಗಲೇ ರಾಜ್ಯ/ಜಿಲ್ಲಾ/ತಾಲ್ಲೂಕು ಮಟ್ಟದಲ್ಲಿ ದಿನಪತ್ರಿಕೆ, ಮಾಧ್ಯಮಗಳ ಮೂಲಕ ವ್ಯಾಪಕ ಪ್ರಚಾರ ಕೈಗೊಳ್ಳಲಾಗಿದೆ. ಮುಂದುವರೆದು, ಇಲಾಖೆಯ ಮುಖಾಂತರ ರಾಜ್ಯ ಮಟ್ಟದ ಅಧಿಕಾರಿಗಳನ್ನು ಒಳಗೊಂಡಂತೆ ವಿದ್ಯಾರ್ಥಿವೇತನ ಅಭಿಯಾನವನ್ನು ಸಹ ಹಮ್ಮಿಕೊಂಡು ಎಲ್ಲಾ ಅರ್ಹ ಪರಿಶಿಷ್ಟ ಜಾತಿ ವಿದ್ಯಾರ್ಥಿಗಳು ಸದರಿ ಯೋಜನೆಯಡಿ ನೋಂದಣಿಯಾಗಲು ಕ್ರಮವಹಿಸಲಾಗಿದೆ. ಅಲ್ಲದೇ, ವಿದ್ಯಾರ್ಥಿಗಳು ಆನ್‌ಲೈನ್ ಮೂಲಕ ಅರ್ಜಿ ಸಲ್ಲಿಸಲು ಅನುಕೂಲವಾಗುವ ನಿಟ್ಟಿನಲ್ಲಿ ಇಲಾಖೆಯ ವ್ಯಾಪ್ತಿಯಲ್ಲಿ ಕಾರ್ಯನಿರ್ವಹಿಸುತ್ತಿರುವ ಎಲ್ಲಾ ಮೆಟ್ರಿಕ್</td></tr>
</table>

| | | |
|---|---|---|
| | | ನಂತರದ ವಿದ್ಯಾರ್ಥಿನಿಲಯಗಳಲ್ಲಿ ಸಹಾಯವಾಣಿ ಕೇಂದ್ರಗಳನ್ನು ಪ್ರಾರಂಭಿಸಲಾಗಿದೆ.<br><br>ಮುಂದುವರೆದು, ಕುಟುಂಬದ ವಾರ್ಷಿಕ ಆದಾಯದ ರೂ. 2.50 ಲಕ್ಷಗಳಿಂದ ರೂ. 10.00 ಲಕ್ಷಗಳ ಮಿತಿಯೊಳಗಿರುವ ಪರಿಶಿಷ್ಟ ಜಾತಿ ವಿದ್ಯಾರ್ಥಿಗಳ ಶೈಕ್ಷಣಿಕ ಹಿತದೃಷ್ಟಿಯಿಂದ ರಾಜ್ಯದ ಪಾಲಿನ ಅನುದಾನದಲ್ಲಿ ತಾಂತ್ರಿಕ ಶಿಕ್ಷಣ ಇಲಾಖೆ ಮತ್ತು ವೈದ್ಯಕೀಯ ಶಿಕ್ಷಣ ಇಲಾಖೆಯ ವತಿಯಿಂದ ವಿದ್ಯಾರ್ಥಿವೇತನ ಮಂಜೂರು ಮಾಡುವ ಸಂಬಂಧ ಅಂತಹ ವಿದ್ಯಾರ್ಥಿಗಳಿಗೂ ಸಹ ಆನ್‌ಲೈನ್ ಮೂಲಕ ಅರ್ಜಿ ಸಲ್ಲಿಸಲು ಅವಕಾಶ ಕಲ್ಪಿಸಲಾಗಿದೆ. |
| ಇ) | ನಿಗದಿಪಡಿಸಲಾದ ವಾರ್ಷಿಕ ಆದಾಯದ ಮಿತಿಯನ್ನು ಪರಿಷ್ಕರಿಸಲು ಸರ್ಕಾರ ಇಚ್ಛಿಸಿದೆಯೇ; ಹಾಗಿದ್ದಲ್ಲಿ, ವಿವರಗಳನ್ನು ಒದಗಿಸುವುದು? | ಮೆಟ್ರಿಕ್ ನಂತರದ ವಿದ್ಯಾರ್ಥಿವೇತನ ಕಾರ್ಯಕ್ರಮವು ಕೇಂದ್ರ ಪುರಸ್ಕೃತ ಯೋಜನೆಯಾಗಿದ್ದು, ಕೇಂದ್ರ ಸರ್ಕಾರವು ಕಾಲಕಾಲಕ್ಕೆ ಹೊರಡಿಸುವ ಮಾರ್ಗಸೂಚಿಗಳನ್ವಯ ವಿದ್ಯಾರ್ಥಿವೇತನ ಮಂಜೂರು ಮಾಡಲಾಗುತ್ತಿದೆ. ಭಾರತ ಸರ್ಕಾರದ ಮೆಟ್ರಿಕ್ ನಂತರದ ವಿದ್ಯಾರ್ಥಿವೇತನ ಮಾರ್ಗಸೂಚಿ (2020-21 ರಿಂದ 2025-26)ರನ್ವಯ ಕುಟುಂಬದ ವಾರ್ಷಿಕ ಆದಾಯದ ಮಿತಿಯನ್ನು ರೂ. 2.50 ಲಕ್ಷಗಳಿಗೆ ನಿಗದಿಪಡಿಸಲಾಗಿದೆ.<br><br>ಅಲ್ಲದೇ, ತಾಂತ್ರಿಕ ಮತ್ತು ವೈದ್ಯಕೀಯ ಕೋರ್ಸುಗಳಲ್ಲಿ ವ್ಯಾಸಂಗ ಮಾಡುತ್ತಿರುವ ಹಾಗೂ ಕುಟುಂಬದ ವಾರ್ಷಿಕ ಆದಾಯದ ರೂ. 2.50 ಲಕ್ಷಗಳಿಂದ ರೂ. 10.00 ಲಕ್ಷಗಳ ಮಿತಿಯೊಳಗಿರುವ ಪರಿಶಿಷ್ಟ ಜಾತಿ ವಿದ್ಯಾರ್ಥಿಗಳ ಶೈಕ್ಷಣಿಕ ಹಿತದೃಷ್ಟಿಯಿಂದ ರಾಜ್ಯದ ಪಾಲಿನ ಅನುದಾನದಲ್ಲಿ ತಾಂತ್ರಿಕ ಶಿಕ್ಷಣ ಇಲಾಖೆ ಮತ್ತು ವೈದ್ಯಕೀಯ ಶಿಕ್ಷಣ ಇಲಾಖೆಯ ವತಿಯಿಂದ ವಿದ್ಯಾರ್ಥಿವೇತನ ಮಂಜೂರು ಮಾಡಲಾಗುತ್ತಿದೆ.<br><br>ಮುಂದುವರೆದು, ಪರಿಶಿಷ್ಟ ಜಾತಿ ವಿದ್ಯಾರ್ಥಿಗಳ ಶೈಕ್ಷಣಿಕ ಹಿತದೃಷ್ಟಿಯಿಂದ ವಿದ್ಯಾರ್ಥಿವೇತನ ಕಾರ್ಯಕ್ರಮದಡಿ ಕೇಂದ್ರ ಸರ್ಕಾರವು ನಿಗದಿಪಡಿಸಿರುವ ವಾರ್ಷಿಕ ಆದಾಯ ಮಿತಿಯನ್ನು ಪರಿಷ್ಕರಿಸಲು ಪ್ರಸ್ತಾವನೆಯನ್ನು ಈಗಾಗಲೇ ಕೇಂದ್ರ ಸರ್ಕಾರಕ್ಕೆ ಸಲ್ಲಿಸಲಾಗಿದ್ದು, ಅನೇಕ ಸಭೆಗಳಲ್ಲಿಯೂ ಸಹ ಈ ಬಗ್ಗೆ ಚರ್ಚಿಸಲಾಗಿದೆ. ಈ ಸಂಬಂಧ ಕೇಂದ್ರ ಸರ್ಕಾರದ ನಿರ್ಣಯವನ್ನು ನಿರೀಕ್ಷಿಸಲಾಗುತ್ತಿದೆ. |

ಸಕಇ 126 ಪಕವಿ 2022

(ಕೋಟ ಶ್ರೀನಿವಾಸ ಪೂಜಾರಿ)
ಸಮಾಜ ಕಲ್ಯಾಣ ಮತ್ತು
ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು.